# ಕರ್ನಾಟಕ ವಿಧಾನಸಭೆ

(15ನೇ ವಿಧಾನಸಭೆ)
ಹನ್ನೆರಡನೇ ಅಧಿವೇಶನ

## ಕಾರ್ಯಕಲಾಪಗಳ ಪಟ್ಟಿ

ಸೋಮವಾರ, ದಿನಾಂಕ 21ನೇ ಫೆಬ್ರವರಿ, 2022
(ಸಮಯ: ಬೆಳಿಗ್ಗೆ 11.00 ಗಂಟೆಗೆ)

----

## 1. ಪ್ರಶ್ನೋತ್ತರ

ಅ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು : ಐದನೇ ಪಟ್ಟಿ
ಆ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು : ಐದನೇ ಪಟ್ಟಿ

## 2. ಶಾಸನ ರಚನೆ

### ವಿಧೇಯಕಗಳನ್ನು ಪರ್ಯಾಲೋಚಿಸುವುದು ಮತ್ತು ಅಂಗೀಕರಿಸುವುದು

**1. ಶ್ರೀ ಬಸವರಾಜ ಬೊಮ್ಮಾಯಿ (ಮಾನ್ಯ ಮುಖ್ಯಮಂತ್ರಿಗಳು) ಅವರು:–**

ಅ) 2022ನೇ ಸಾಲಿನ ಕರ್ನಾಟಕ ಸಿವಿಲ್ ಸೇವೆಗಳ (2011ನೇ ಸಾಲಿನ ಗೆಜೆಟೆಡ್ ಪ್ರೊಬೇಷನರರ ಆಯ್ಕೆ ಮತ್ತು ನೇಮಕಾತಿಯ ಸಿಂಧುಗೊಳಿಸುವಿಕೆ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**2. ಶ್ರೀ ಆರ್. ಅಶೋಕ್ (ಮಾನ್ಯ ಕಂದಾಯ ಸಚಿವರು) ಅವರು:–**

ಅ) 2022ನೇ ಸಾಲಿನ ಕರ್ನಾಟಕ ಸ್ಟಾಂಪು (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**3. ಶ್ರೀ ಆರ್. ಅಶೋಕ್ (ಮಾನ್ಯ ಕಂದಾಯ ಸಚಿವರು) ಅವರು:–**

ಅ) 2022ನೇ ಸಾಲಿನ ಕರ್ನಾಟಕ ಸ್ಟಾಂಪು (ಎರಡನೇ ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**4. ಶ್ರೀ ಆರಗ ಜ್ಞಾನೇಂದ್ರ (ಮಾನ್ಯ ಗೃಹ ಸಚಿವರು) ಅವರು:–**

ಅ) 2022ನೇ ಸಾಲಿನ ಕ್ರಿಮಿನಲ್ ಕಾನೂನು ತಿದ್ದುಪಡಿ ಅಧ್ಯಾದೇಶ, 1944 (ಕರ್ನಾಟಕ ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

## 3. ಅರ್ಜಿಯನ್ನೊಪ್ಪಿಸುವುದು

**ಶ್ರೀ ಆನಂದ ಅಲಿಯಾಸ್ ವಿಶ್ವನಾಥ ಚಂದ್ರಶೇಖರ ಮಾಮನಿ** (ಮಾನ್ಯ ಉಪ ಸಭಾಧ್ಯಕ್ಷರು ಹಾಗೂ ಅಧ್ಯಕ್ಷರು, ಅರ್ಜಿಗಳ ಸಮಿತಿ) ಅವರು ಈ ಕೆಳಕಂಡ ಅರ್ಜಿಯನ್ನು ಒಪ್ಪಿಸುವುದು:

ವಾಲ್ಮೀಕಿ ಆಶ್ರಮದ ಶಾಲಾ ಶಿಕ್ಷಕರಿಗೆ ವೇತನ ಹೆಚ್ಚಳ ಹಾಗೂ ಖಾಯಂಗೊಳಿಸುವ ಬಗ್ಗೆ.

## 4. ರಾಜ್ಯಪಾಲರ ಭಾಷಣಕ್ಕೆ ಸಂಬಂಧಿಸಿದ ವಂದನಾರ್ಪಣಾ ಪ್ರಸ್ತಾವ

ದಿನಾಂಕ 15ನೇ ಫೆಬ್ರವರಿ, 2022ರಂದು ಶ್ರೀ ಪಿ. ರಾಜೀವ್ ರವರು ಸೂಚಿಸಿ, ಶ್ರೀ ಎಸ್. ಕುಮಾರ್ ಬಂಗಾರಪ್ಪ ರವರು ಅನುಮೋದಿಸಿದ ಕೆಳಕಂಡ ಪ್ರಸ್ತಾವದ ಮೇಲೆ ಮುಂದುವರೆದ ಚರ್ಚೆ (ಎರಡನೇ ದಿನ).

"ದಿನಾಂಕ 14ನೇ ಫೆಬ್ರವರಿ, 2022 ರಂದು ವಿಧಾನಮಂಡಲದ ಉಭಯ ಸದನಗಳ ಸದಸ್ಯರುಗಳನ್ನುದ್ದೇಶಿಸಿ ದಯಪಾಲಿಸಿದ ಭಾಷಣಕ್ಕಾಗಿ ಈ ಅಧಿವೇಶನದಲ್ಲಿ ಸೇರಿರುವ ವಿಧಾನಸಭೆಯ ಸದಸ್ಯರಾದ ನಾವು ಮಾನ್ಯ ರಾಜ್ಯಪಾಲರವರಿಗೆ ಕೃತಜ್ಞತಾಪೂರ್ವಕವಾದ ವಂದನೆಗಳನ್ನು ಸಮರ್ಪಿಸಲು ಅಪ್ಪಣೆ ಕೋರುತ್ತೇವೆ".

## 5. ನಿಯಮ 69ರ ಮೇರೆಗೆ ಸಾರ್ವಜನಿಕ ಮಹತ್ವದ ಜರೂರು ವಿಷಯಗಳ ಬಗ್ಗೆ ಅಲ್ಪ ಕಾಲಾವಧಿ ಚರ್ಚೆ

**ಶ್ರೀ ಎ.ಟಿ. ರಾಮಸ್ವಾಮಿ ಅವರು** – ಬೆಂಗಳೂರು ನಗರ ಜಿಲ್ಲೆ ಬೇಗೂರು ಹೋಬಳಿ ಹುಳಿಮಾವು ಗ್ರಾಮದಲ್ಲಿ ಸರ್ಕಾರಿ ಭೂಮಿಯ ಹಕ್ಕು ದಾಖಲೆಗಳನ್ನು ಅಕ್ರಮವಾಗಿ ಖಾಸಗಿ ವ್ಯಕ್ತಿಯ ಹೆಸರುಗಳಿಗೆ ದಾಖಲೆ ಮಾಡಿರುವ ಅಧಿಕಾರಿಗಳ ವಿರುದ್ಧ ಶಿಸ್ತು ಕ್ರಮ ಕೈಗೊಳ್ಳುವ ಬಗ್ಗೆ ಹಾಗೂ ಇದೇ ರೀತಿ ರಾಜ್ಯದಲ್ಲಿ ಹಲವಾರು ಪ್ರಕರಣಗಳಲ್ಲಿ ಸರ್ಕಾರದ ಆಸ್ತಿ ಲೂಟಿಯಾಗುತ್ತಿರುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

## 6. ಗಮನ ಸೆಳೆಯುವ ಸೂಚನೆಗಳು

1) **ಶ್ರೀ ಶಿವಾನಂದ ಪಾಟೀಲ ಅವರು** – ಬಸವನ ಕಲ್ಯಾಣಕ್ಕೆ ಹೊಸ ಅನುಭವ ಮಂಟಪವನ್ನು ನಿರ್ಮಿಸಲು ಹಾಗೂ ವಿಜಯಪುರ ಜಿಲ್ಲೆ ಬಸವನ ಬಾಗೇವಾಡಿ ತಾಲ್ಲೂಕಿನ ಇಂಗಳೇಶ್ವರ ಗ್ರಾಮದ ಅಭಿವೃದ್ಧಿಗಾಗಿ ನೀಡಿರುವ ಅನುದಾನದ ಹಂಚಿಕೆಯಲ್ಲಿನ ತಾರತಮ್ಯದ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

2) **ಶ್ರೀ ಸಾ.ರಾ. ಮಹೇಶ್ ಅವರು** – ಮೈಸೂರು ನಗರ ಸಾರಿಗೆ ವಿಭಾಗವನ್ನು ಮೈಸೂರು ಗ್ರಾಮಾಂತರ ವಿಭಾಗದೊಂದಿಗೆ ವಿಲೀನಗೊಳಿಸಲು ಕೈಗೊಂಡಿರುವ ನಿರ್ಣಯವನ್ನು ಕೈಬಿಡುವ ಬಗ್ಗೆ ಹಾಗೂ ಮೈಸೂರು ನಗರ ಸಾರಿಗೆ ವಿಭಾಗಕ್ಕೆ ಹೆಚ್ಚುವರಿಯಾಗಿ ಗ್ರಾಮಾಂತರ ಘಟಕ 1 ಮತ್ತು 3 ಹಾಗೂ ನಂಜನಗೂಡು ಘಟಕಗಳನ್ನು ಸೇರ್ಪಡೆಗೊಳಿಸಿ ಯಥಾಸ್ಥಿತಿಯನ್ನು ಮುಂದುವರೆಸುವ ಬಗ್ಗೆ ಮಾನ್ಯ ಸಾರಿಗೆ ಹಾಗೂ ಪರಿಶಿಷ್ಟ ಪಂಗಡಗಳ ಕಲ್ಯಾಣ ಸಚಿವರ ಗಮನ ಸೆಳೆಯುವುದು.

3) **ಶ್ರೀ ಶರತ್ ಕುಮಾರ್ ಬಚ್ಚೇಗೌಡ ಅವರು** – ರಾಜ್ಯದಲ್ಲಿ ವಿವಿಧ ಮೂಲಗಳಿಂದ ಉತ್ಪಾದನೆಯಾಗಿರುವ ವಿದ್ಯುತ್ ಪ್ರಮಾಣ, ಬಳಕೆಯಾಗುತ್ತಿರುವ ಪ್ರಮಾಣ, ಖರೀದಿಸಿದ ವಿದ್ಯುತ್ ಪ್ರಮಾಣ ಹಾಗೂ ವಿದ್ಯುತ್ ಖರೀದಿಗೆ ತಗುಲಿದ ವೆಚ್ಚದ ಬಗ್ಗೆ ಮಾನ್ಯ ಇಂಧನ ಹಾಗೂ ಕನ್ನಡ ಮತ್ತು ಸಂಸ್ಕೃತಿ ಸಚಿವರ ಗಮನ ಸೆಳೆಯುವುದು.

4) **ಶ್ರೀ ಎಂ. ಕೃಷ್ಣಾರೆಡ್ಡಿ ಅವರು** – ರಾಜ್ಯದಲ್ಲಿನ 108 ಆರೋಗ್ಯ ಕವಚ ಆ್ಯಬುಂಲೆನ್ಸ್ ವಾಹನಗಳಲ್ಲಿ ನುರಿತ ದಾದಿಯರನ್ನು ನೇಮಿಸುವ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರ ಗಮನ ಸೆಳೆಯುವುದು.

5) **ಶ್ರೀ ಡಿ. ವೇದವ್ಯಾಸ ಕಾಮತ್ ಅವರು** – ಪಾಲಿಕೆಯ ಕಟ್ಟಡಗಳ ನಿರ್ಮಾಣಕ್ಕಾಗಿ ಸಂಗ್ರಹಿಸಲಾಗುವ ಪ್ರೀಮಿಯಂ ಎಫ್.ಎ.ಆರ್. ಶುಲ್ಕದ ಮೊತ್ತದಲ್ಲಿ ಪ್ರೀಮಿಯಂ ಎಫ್.ಎ.ಆರ್. ಕಾಮಗಾರಿಗಳಿಗೆ ಪಾವತಿಸಿ ಬಾಕಿ ಉಳಿಯುವ ಅನುದಾನವನ್ನು ಪಾಲಿಕೆಯ ದೈನಂದಿನ ನಿರ್ವಹಣೆಯ ಇತರೆ ವೆಚ್ಚಗಳಿಗಾಗಿ ಬಳಸಿಕೊಳ್ಳಲು ಒಂದು ಬಾರಿ ಅನುಮತಿ ನೀಡುವ ಬಗ್ಗೆ ಮಾನ್ಯ ನಗರಾಭಿವೃದ್ಧಿ ಸಚಿವರ ಗಮನ ಸೆಳೆಯುವುದು.

6) **ಶ್ರೀ ಪಿ. ರಾಜೀವ್ ಅವರು** – ಬೆಳಗಾವಿ ಜಿಲ್ಲೆಯ ರಾಯಬಾಗ ತಾಲ್ಲೂಕಿನ ಚಿಂಚಲಿ ಪಟ್ಟಣ ಪಂಚಾಯಿತಿ ವ್ಯಾಪ್ತಿಯಲ್ಲಿ ಸ್ಮಶಾನಕ್ಕೆ ಮೀಸಲಿಟ್ಟ ಜಾಗದಲ್ಲಿ ಪ್ರಾರಂಭಿಸಿರುವ ಬಾರ್ ಮತ್ತು ರೆಸ್ಟೋರೆಂಟ್‌ನ ವಹಿವಾಟನ್ನು ನ್ಯಾಯಾಲಯದ ಅಂತಿಮ ತೀರ್ಪು ಬರುವವರೆಗೆ ಸ್ಥಗಿತಗೊಳಿಸುವ ಬಗ್ಗೆ ಮಾನ್ಯ ಅಬಕಾರಿ ಸಚಿವರ ಗಮನ ಸೆಳೆಯುವುದು.

7) **ಶ್ರೀ ಪಿ.ಟಿ. ಪರಮೇಶ್ವರ ನಾಯಕ್ ಅವರು** – ತಾಂಡ, ಹಾಡಿ ಮತ್ತು ಗೊಲ್ಲರ ಹಟ್ಟಿಗಳನ್ನು ಕಂದಾಯ ಗ್ರಾಮಗಳನ್ನಾಗಿ ಮಾಡುವ ತಿರ್ಮಾನವನ್ನು ಸಮರ್ಪಕವಾಗಿ ಜಾರಿಗೊಳಿಸುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

8) **ಶ್ರೀ ಬಸನಗೌಡ ತುರುವಿಹಾಳ್ ಅವರು** – ರಾಯಚೂರು ಜಿಲ್ಲೆಯ ವಿವಿಧ ತಾಲ್ಲೂಕಿನ ಜಮೀನುಗಳಿಗೆ ನೀರಾವರಿ ಸೌಲಭ್ಯ ಕಲ್ಪಿಸುವ ಎನ್.ಆರ್.ಬಿ.ಸಿ. 5ಎ ಕಾಲುವೆಯ ಯೋಜನೆಯನ್ನು ಕೈಗೆತ್ತಿಕೊಳ್ಳುವ ಬಗ್ಗೆ ಮಾನ್ಯ ಜಲಸಂಪನ್ಮೂಲ ಸಚಿವರ ಗಮನ ಸೆಳೆಯುವುದು.

9) **ಶ್ರೀ ಕೆ.ಎಂ. ಶಿವಲಿಂಗೇಗೌಡ ಅವರು** – ವಿವಿಧ ಇಲಾಖೆಗಳಲ್ಲಿ ಹೊರಗುತ್ತಿಗೆ ಆಧಾರದ ಮೇಲಿನ ನೇಮಕಾತಿಯಲ್ಲಿ ಆಗುತ್ತಿರುವ ಅನ್ಯಾಯದ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

10) **ಶ್ರೀ ಲಾಲಾಜಿ ಆರ್. ಮೆಂಡನ್ ಅವರು** – ಕಾಪು ವಿಧಾನಸಭಾ ಕ್ಷೇತ್ರದ ನದಿ ಪ್ರದೇಶಗಳಲ್ಲಿ ಪ್ರಕೃತಿಯ ಹವಾಮಾನ ವೈಪರಿತ್ಯದಿಂದ ಗದ್ದೆಗೆ ನುಗ್ಗುವ ಉಪ್ಪು ನೀರಿನಿಂದಾಗಿ ಬೆಳೆ ಹಾನಿಯಾಗುತ್ತಿರುವುದರಿಂದ ಉಪ್ಪು ನೀರು ತಡೆಗೋಡೆ ನಿರ್ಮಿಸಲು ವಿಶೇಷ ಪ್ಯಾಕೇಜ್ ಘೋಷಣೆ ಮಾಡುವ ಬಗ್ಗೆ ಹಾಗೂ ಬೆಳೆ ಹಾನಿಗೆ ಪರಿಹಾರವನ್ನು ನೀಡುವ ಬಗ್ಗೆ ಮಾನ್ಯ ಸಣ್ಣ ನೀರಾವರಿ ಹಾಗೂ ಕಾನೂನು, ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನೆ ಸಚಿವರ ಗಮನ ಸೆಳೆಯುವುದು.

11) **ಶ್ರೀ ಹೆಚ್.ಡಿ. ರೇವಣ್ಣ ಅವರು** – ಹಾಸನ ಜಿಲ್ಲೆ ಚನ್ನರಾಯಪಟ್ಟಣ ತಾಲ್ಲೂಕು ಪಂಚಾಯಿತಿಯಲ್ಲಿ ಕಾರ್ಯನಿರ್ವಹಿಸುತ್ತಿರುವ ಪಂಚಾಯಿತಿ ಅಭಿವೃದ್ಧಿ ಅಧಿಕಾರಿಯು ವಿವಿಧ ಗ್ರಾಮ ಪಂಚಾಯಿತಿಗಳಲ್ಲಿ ಕಾಮಗಾರಿಯ ಬಿಲ್ಲುಗಳಲ್ಲಿ ಕಟಾಯಿಸಿದ ಶಾಸನ ಬದ್ಧ ತೆರಿಗೆಗಳನ್ನು ಸರ್ಕಾರಕ್ಕೆ ಜಮಾ ಮಾಡದೇ ಹಣವನ್ನು ದುರುಪಯೋಗ ಮಾಡಿರುವ ಬಗ್ಗೆ ಸಮಗ್ರವಾಗಿ ತನಿಖೆ ಮಾಡಿ, ಕಾನೂನು ರೀತ್ಯಾ ಕ್ರಮ ಜರುಗಿಸುವ ಬಗ್ಗೆ ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್‌ರಾಜ್ ಸಚಿವರ ಗಮನ ಸೆಳೆಯುವುದು.

**ಎಂ.ಕೆ.ವಿಶಾಲಾಕ್ಷಿ**
**ಕಾರ್ಯದರ್ಶಿ(ಪ್ರ)**

---

**ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ಅಂತರ್ಜಾಲದ ಈ ವಿಳಾಸದಲ್ಲಿ ಪಡೆದುಕೊಳ್ಳಬಹುದು**
***http://kla.kar.nic.in/assembly/lob/lob.htm***